ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಸೋಮವಾರ, ದಿನಾಂಕ: 14ನೇ ಡಿಸೆಂಬರ್, 2020

ಕೋಲಾರ ಮತ್ತು ಚಿಕ್ಕಬಳ್ಳಾಪುರ ಜಿಲ್ಲೆಗಳ ಪ್ರಥಮ ದರ್ಜೆ ಕಾಲೇಜುಗಳ ಬಗ್ಗೆ

ಶ್ರೀ ಸಿ.ಆರ್.ಮನೋಹರ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

638(679) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಮಾಹಿತಿ ತಂತ್ರಜ್ಞಾನ, ಜೈವಿಕ ತಂತ್ರಜ್ಞಾನ ಹಾಗೂ ವಿಜ್ಞಾನ ಮತ್ತು ತಂತ್ರಜ್ಞಾನ ಹಾಗೂ ಕೌಶಲ್ಯಾಭಿವೃದ್ಧಿ, ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕೋಲಾರ ಮತ್ತು ಚಿಕ್ಕಬಳ್ಳಾಪುರ ಜಿಲ್ಲೆಗಳಲ್ಲಿರುವ ಸರ್ಕಾರಿ ಪ್ರಥಮ ದರ್ಜೆ ಕಾಲೇಜುಗಳ ಸಂಖ್ಯೆ ಎಷ್ಟು;

(ಆ) ಎಲ್ಲಾ ಪ್ರಥಮ ದರ್ಜೆ ಕಾಲೇಜುಗಳಿಗೆ ಸ್ವಂತ ಕಟ್ಟಡಗಳಿವೆಯೇ;

(ಇ) ಇಲ್ಲದಿದ್ದರೆ, ಎಷ್ಟು ಕಾಲೇಜುಗಳಿಗೆ ಸ್ವಂತ ಕಟ್ಟಡಗಳಿಲ್ಲ ; ಯಾವ ಯಾವ ಕಾರಣದಿಂದ ಕಾಲೇಜುಗಳು ಸ್ವಂತ ಕಟ್ಟಡಗಳನ್ನು ಹೊಂದಿರುವುದಿಲ್ಲ;

(ಈ) ಸ್ವಂತ ಕಟ್ಟಡಗಳನ್ನು ಕಲ್ಪಿಸಲು ಅಗತ್ಯವಿರುವ ಅನುದಾನವೆಷ್ಟು;

(ಉ) ಎಷ್ಟು ವರ್ಷಗಳೊಳಗೆ ಕಟ್ಟಡಗಳನ್ನು ಒದಗಿಸಲಾಗುವುದು? (ಜಿಲ್ಲಾವಾರು ವಿವರ ನೀಡುವುದು)